ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಮಂಗಳವಾರ, ದಿನಾಂಕ : 23ನೇ ಜುಲೈ, 2019

ಸರ್ಕಾರಿ ಆಂಗ್ಲ ಮಾಧ್ಯಮ ಶಾಲೆಗಳು

ಶ್ರೀ ಕೆ.ಸಿ. ಕೊಂಡಯ್ಯ (ಸ್ಥಳೀಯ ಸಂಸ್ಥೆಗಳ ಕ್ಷೇತ್ರದಿಂದ ಚುನಾಯಿತರಾದವರು):-

510 (511) ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಸರ್ಕಾರದ ವತಿಯಿಂದ ಕರ್ನಾಟಕ ಪಬ್ಲಿಕ್ ಸ್ಕೂಲ್‌ಗಳ ಮೂಲಕ ಸರ್ಕಾರಿ ಶಾಲೆಗಳಲ್ಲಿ ಆಂಗ್ಲ ಮಾಧ್ಯಮ ಶಾಲೆಗಳನ್ನು ಪ್ರಾರಂಭ ಮಾಡಿರುವುದರಿಂದ, ಮಾತೃಭಾಷೆಯಾದ ಕನ್ನಡವನ್ನು ಸರ್ಕಾರವೇ ಅವಗಣನೆ ಮಾಡಿದಂತಾಗಿಲ್ಲವೇ ;

(ಆ) ಕೆ.ಪಿ.ಎಸ್. ಶಾಲೆಗಳಲ್ಲಿ ಆಂಗ್ಲ ಮಾಧ್ಯಮದಲ್ಲಿ ಬೋಧನೆ ಮಾಡಲು ತರಬೇತು ಪಡೆದ ಆಂಗ್ಲ ಬೋಧಕ ಶಿಕ್ಷಕರನ್ನು ನೇಮಕ ಮಾಡಲಾಗಿದೆಯೇ ಅಥವಾ ಕನ್ನಡ ಮಾಧ್ಯಮದಲ್ಲಿ ಬೋಧಿಸುತ್ತಿದ್ದ ಶಿಕ್ಷಕರಿಗೆ ಈ ಜವಾಬ್ದಾರಿಯನ್ನು ವಹಿಸಲಾಗಿದೆಯೇ ;

(ಇ) ಪ್ರಸ್ತುತ ಪ್ರಾರಂಭಿಸಿರುವ ಕೆ.ಪಿ.ಎಸ್ ಶಾಲೆಗಳಲ್ಲಿ ವಿದ್ಯಾರ್ಥಿ ಮತ್ತು ಶಿಕ್ಷಕರ ಅನುಪಾತವೆಷ್ಟು ?